

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## ಚುಕ್ಕೆ ಗುರುತಿನ ಪ್ರಶ್ನೆ

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 249 (1741)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಅಡಗೂರ್ ಹೆಚ್. ವಿಶ್ವನಾಥ್ (ನಾಮನಿರ್ದೇಶನ ಹೊಂದಿದವರು )

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು

ವಿಷಯ : ರಾಜ್ಯದ ವಿಶ್ವವಿದ್ಯಾನಿಲಯದ ಅಕ್ರಮ ಡಾಕ್ಟರೇಟ್ ಪಡೆದಿರುವ ಬಗ್ಗೆ ತನಿಖೆ ನಡೆಸುವ ಕುರಿತು

(ಅ) ರಾಜ್ಯದಲ್ಲಿರುವ ವಿಶ್ವವಿದ್ಯಾನಿಲಯಗಳಿಂದ ಅಕ್ರಮವಾಗಿ ಗೌರವ ಡಾಕ್ಟರೇಟ್ ನೀಡುತ್ತಿರುವ ಬಗ್ಗೆ ಸರ್ಕಾರಕ್ಕೆ ದೂರು ಬಂದಲ್ಲಿ ಕ್ರಮ ಕೈಗೊಳ್ಳುವುದಾಗಿ ಕಳೆದ ಅಧಿವೇಶನದ ಅವಧಿಯಲ್ಲಿ ಮೇಲ್ಮನೆಯಲ್ಲಿ ಉನ್ನತ ಶಿಕ್ಷಣ ಸಚಿವರು ಭರವಸೆ ನೀಡಿರುವುದು ನಿಜವಲ್ಲವೇ;

(ಆ) ಹಾಗಿದ್ದಲ್ಲಿ, ಅಕ್ರಮವಾಗಿ ರಾಜ್ಯಪಾಲರ ಸುತ್ತೋಲೆಯನ್ನು ಕಡೆಗಣಿಸಿ ಅಲಯನ್ಸ್ ವಿಶ್ವವಿದ್ಯಾನಿಲಯದಿಂದ ಮಾನ್ಯ ರಾಜ್ಯಪಾಲರಿಂದ ಗೌರವ ಡಾಕ್ಟರೇಟ್ ಪಡೆದಿರುವ ಪ್ರಕರಣದ ಬಗ್ಗೆ ಸರ್ಕಾರಕ್ಕೆ ದೂರು ಬಂದಿದ್ದು, ಈ ದೂರಿನ ಕುರಿತು ಕರ್ನಾಟಕ ಉನ್ನತ ಶಿಕ್ಷಣ ಪರಿಷತ್ತಿನ ಅಭಿಪ್ರಾಯ ಕೋರಲಾಗಿತ್ತೆ; ಹಾಗಾದಲ್ಲಿ ಈ ಬಗ್ಗೆ ಸದರಿ ಪರಿಷತ್ ನೀಡಿರುವ ಅಭಿಪ್ರಾಯ/ವರದಿಗಳೇನು;

(ಇ) ಈ ಶಿಫಾರಸ್ಸಿನನ್ವಯ ಪ್ರಕರಣದ ಕುರಿತು ಸೂಕ್ತ ತನಿಖಾ ಸಂಸ್ಥೆಯಿಂದ ತನಿಖೆ ನಡೆಸಲು ಸರ್ಕಾರ ಕೈಗೊಂಡಿರುವ ಕ್ರಮಗಳೇನು; ಒಂದು ವರ್ಷದಿಂದ ಸರ್ಕಾರ ಸದರಿ ದೂರಿನ ಕುರಿತು ಉನ್ನತ ಶಿಕ್ಷಣ ಪರಿಷತ್‌ನಿಂದ ವರದಿ ಪಡೆದಿದ್ದು, ವರದಿಯಲ್ಲಿ ಈ ಆರೋಪವು ಗುರುತರವಾಗಿರುವುದರಿಂದ ಸರ್ಕಾರದ ಹಂತದಲ್ಲಿ ಸೂಕ್ತ ತನಿಖಾ ಸಂಸ್ಥೆಯಿಂದ ತನಿಖೆ ನಡೆಸಿ ಕ್ರಮಕೈಗೊಳ್ಳಲು ಶಿಫಾರಸ್ಸು ಮಾಡಿದಾಗ್ಯೂ ಸರ್ಕಾರ ಕ್ರಮ ಕೈಗೊಳ್ಳದಿರಲು ಕಾರಣಗಳೇನು; ಹಾಗೂ ಮುಂದೆ ಕೈಗೊಳ್ಳಲಿರುವ ಕ್ರಮಗಳೇನು;

(ಈ) ಸದರಿ ಪ್ರಕರಣದಲ್ಲಿ ಉನ್ನತ ಶಿಕ್ಷಣ ಇಲಾಖೆಯ ಅಧಿಕಾರಿಗಳು ಶಾಮೀಲಾಗಿ ಪ್ರಕರಣವನ್ನು ಮುಚ್ಚಿ ಹಾಕಲು ಪ್ರಯತ್ನಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆಯೇ; ಹಾಗಿದ್ದಲ್ಲಿ, ಅಂತಹವರ ವಿರುದ್ಧ ಸರ್ಕಾರ ಕೈಗೊಂಡ ಕ್ರಮಗಳೇನು?